ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತಮೂರನೆಯ ಅಧಿವೇಶನ
ಶುಕ್ರವಾರ, ದಿನಾಂಕ : 05 ನೇ ಫೆಬ್ರುವರಿ, 2021

ಶುದ್ಧ ನೀರಿನ ಘಟಕಗಳ ಬಗ್ಗೆ

ಶ್ರೀ ಶಶೀಲ್ ಜಿ. ನಮೋಶಿ(ಶಿಕ್ಷಕರ ಕ್ಷೇತ್ರ) -

ಶ್ರೀ ರಘುನಾಥ್‌ರಾವ್ ಮಲ್ಕಾಪೂರೆ(ವಿಧಾನಸಭೆಯಿಂದ ಚುನಾಯಿತರಾದವರು) -

87 (585+552) ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ -

(ಅ) ರಾಜ್ಯದಲ್ಲಿ ಪ್ರಾರಂಭದಿಂದ ಇಲ್ಲಿಯವರೆಗೆ ಎಷ್ಟು ಶುದ್ಧ ಕುಡಿಯುವ ನೀರನ ಘಟಕಗಳನ್ನು ನಿರ್ಮಾಣ ಮಾಡಲಾಗಿದೆ; (ವರ್ಷವಾರು, ಜಿಲ್ಲಾವಾರು ವಿವರ ನೀಡುವುದು)

(ಆ) ಈ ಕುಡಿಯುವ ನೀರಿನ ಘಟಕಗಳ ನಿರ್ಮಾಣ ಕಾರ್ಯವನ್ನು ಯಾವ ಖಾಸಗಿ ಕಂಪನಿಗೆ ವಹಿಸಲಾಗಿದೆ ಮತ್ತು ಈ ಯೋಜನೆಗೆ ಬಿಡುಗಡೆಯಾದ ಅನುದಾನ ಎಷ್ಟು; (ವರ್ಷವಾರು ಖರ್ಚಾದ ಮತ್ತು ಬಾಕಿ ಉಳಿದಿರುವ ಅನುದಾನದ ವಿವರ ಒದಗಿಸುವುದು)

(ಇ) ಸದರಿ ಶುದ್ಧ ನೀರಿನ ಘಟಕಗಳನ್ನು ಸ್ಥಾಪಿಸುವಲ್ಲಿ ಅವ್ಯವಹಾರ ನಡೆದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದ್ದಿದ್ದಲ್ಲಿ, ಸರ್ಕಾರ ಕೈಗೊಂಡ ಕ್ರಮಗಳೇನು;

(ಈ) ರಾಜ್ಯಾದ್ಯಂತ ಸ್ಥಾಪನೆಯಾದ ದಿನದಿಂದ ಇಲ್ಲಿಯವರೆಗೂ ಶುದ್ಧ ನೀರಿನ ಘಟಕಗಳು ಕಾರ್ಯಾರಂಭ ಮಾಡದಿರುವುದು ಹಾಗೂ ದುರುಸ್ಥಿಗಾಗಿ ಸ್ಥಗಿತಗೊಂಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಈ ರೀತಿ ಕಾರ್ಯಾರಂಭ ಮಾಡದಿರುವ ಹಾಗೂ ದುರಸ್ತಿಗಾಗಿ ಸ್ಥಗಿತಗೊಂಡಿರುವ ಘಟಕಗಳ ಸಂಖ್ಯೆ ಎಷ್ಟು; (ಜಿಲ್ಲಾವಾರು, ತಾಲ್ಲೂಕುವಾರು ವಿವರ ನೀಡುವುದು)

(ಉ) ಈ ಘಟಕಗಳನ್ನು ಸಾವಿರಾರು ಕೋಟಿ ಹಣ ವೆಚ್ಚ ಮಾಡಿ ನಿರ್ಮಾಣ ಮಾಡಿದಾಗ್ಯೂ ಅವುಗಳನ್ನು ಅಧಿಕಾರಿ/ಸಿಬ್ಬಂದಿಗಳು ಸರಿಯಾಗಿ ನಿರ್ವಹಣೆ ಮಾಡದೇ ಹಾಳಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಈ ಕುರಿತು ಸರ್ಕಾರ ಕೈಗೊಂಡಿರುವ ಕ್ರಮಗಳೇನು? (ಸಂಪೂರ್ಣ ಮಾಹಿತಿ ಒದಗಿಸುವುದು)